ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 17 ನೇ ಮಾರ್ಚ್, 2020

ರಾಜ್ಯದಲ್ಲಿ ಸ್ಥಳೀಯ ಪುರಸಭೆ ಮತ್ತು ಪಟ್ಟಣ ಪಂಚಾಯಿತಿ ಮೀಸಲಾತಿ ಬಗ್ಗೆ

ಶ್ರೀ ಬಸವರಾಜ ಶಿವಲಿಂಗಪ್ಪ ಹೊರಟ್ಟಿ(ಶಿಕ್ಷಕರ ಕ್ಷೇತ್ರ):-

155 (1247) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಸ್ಥಳೀಯ ಸಂಸ್ಥೆಗಳ ಪಟ್ಟಣ ಹಾಗೂ ಪಂಚಾಯಿತಿಗಳಿಗೆ ಚುನಾವಣೆ ನಡೆದು ಫಲಿತಾಂಶ ಪ್ರಕಟವಾಗಿ ಎಷ್ಟು ದಿನಗಳಾಗಿವೆ ;

(ಆ) ಈ ಸ್ಥಳೀಯ ಸಂಸ್ಥೆಗಳು ಹಾಗೂ ಪಟ್ಟಣ ಪಂಚಾಯಿತಿಗಳಿಗೆ ಆಯ್ಕೆಯಾದ ಜನಪ್ರತಿನಿಧಿಗಳ ಹೆಸರುಗಳನ್ನು ಕರ್ನಾಟಕ ರಾಜ್ಯ ಪತ್ರದಲ್ಲಿ ಯಾವ ದಿನಾಂಕದಂದು ಪ್ರಕಟಿಸಲಾಗಿದೆ ;

(ಇ) ಈ ಸ್ಥಳೀಯ ಸಂಸ್ಥೆಗಳಿಗೆ ಹಾಗೂ ಪಟ್ಟಣ ಪಂಚಾಯಿತಿಗಳಿಗೆ ಅಧ್ಯಕ್ಷ ಹಾಗೂ ಉಪಾಧ್ಯಕ್ಷರ ಸ್ಥಾನ ನಿಗಧಿಪಡಿಸಲು ನ್ಯಾಯಾಲಯಗಳಲ್ಲಿ ವ್ಯಾಜ್ಯಗಳಿವೆಯೇ ; (ವ್ಯಾಜ್ಯಗಳಿದ್ದಲ್ಲಿ, ವಿವರಗಳನ್ನು ನೀಡುವುದು)

(ಈ) ಒಂದು ವೇಳೆ ವ್ಯಾಜ್ಯಗಳು ನಿರ್ಣಯವಾಗಿದ್ದಲ್ಲಿ, ಸ್ಥಳೀಯ ಸಂಸ್ಥೆಗಳ ಹಾಗೂ ಪಟ್ಟಣ ಪಂಚಾಯಿತಿಗಳ ಅಧ್ಯಕ್ಷ ಮತ್ತು ಉಪಾಧ್ಯಕ್ಷರ ಸ್ಥಾನಗಳಿಗೆ ಮೀಸಲಾತಿ ಪ್ರಕಟಿಸಲು ವಿಳಂಬವಾಗಲು ಕಾರಣಗಳೇನು ;

(ಉ) ಕೂಡಲೇ ಮೀಸಲಾತಿ ನಿಗಧಿಪಡಿಸಿ ಚುನಾಯಿತ ಪ್ರತಿನಿಧಿಗಳು ಸಾರ್ವಜನಿಕರ ಕೆಲಸ ಮಾಡಲು ಸರ್ಕಾರ ಕೈಗೊಳ್ಳಲಿರುವ ಕ್ರಮಗಳೇನು ?